ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 06 ನೇ ಮಾರ್ಚ್, 2020

ಕನ್ನಡ ಮತ್ತು ಸಂಸ್ಕೃತಿ ಇಲಾಖೆಯಡಿ ನೀಡಲಾದ ಅನುದಾನ ಕುರಿತು

ಶ್ರೀ ರಘುನಾಥ್ ರಾವ್ ಮಲ್ಕಾಪೂರೆ (ವಿಧಾನಸಭೆಯಿಂದ ಚುನಾಯಿತರಾದವರು):-

330 (405) ಮಾನ್ಯ ಪ್ರವಾಸೋದ್ಯಮ, ಕನ್ನಡ ಮತ್ತು ಸಂಸ್ಕೃತಿ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಕಳೆದ 3 ವರ್ಷಗಳಲ್ಲಿ ಕನ್ನಡ ಮತ್ತು ಸಂಸ್ಕೃತಿ ಇಲಾಖಾ ವತಿಯಿಂದ ಯಾವ ಯಾವ ಸಂಘ ಸಂಸ್ಥೆಗಳಿಗೆ ಎಷ್ಟು ಅನುದಾನ ಮಂಜೂರು ಮಾಡಲಾಗಿದೆ ; ಅನುದಾನ ಮಂಜೂರು ಮಾಡಲು ಶಿಫಾರಸ್ಸು ಮಾಡಿರುವವರ ಸಂಪೂರ್ಣ ಮಾಹಿತಿ ಒದಗಿಸುವುದು;

(ಆ) ಇಲಾಖೆ ವತಿಯಿಂದ ಸಂಘ ಸಂಸ್ಥೆಗಳಿಗೆ ಅನುದಾನ ಮಂಜೂರು ಮಾಡಲು ಇರುವ ನಿಯಮಗಳನ್ನು ಪಾಲಿಸಲಾಗುತ್ತಿದೆಯೇ ;

(ಇ) ಸದರಿ ನಿಯಮಾವಳಿಗಳನ್ನು ಪಾಲಿಸದಿರುವ ಸಂಘ ಸಂಸ್ಥೆಗಳಿಗೆ ಅನುದಾನ ಮಂಜೂರು ಮಾಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಹಾಗಿದ್ದಲ್ಲಿ, ನಿಯಮಾವಳಿಗಳನ್ನು ಪಾಲಿಸದೆ ಅನುದಾನ ಪಡೆದಿರುವ ಸಂಘ ಸಂಸ್ಥೆಗಳು ಯಾವುವು ; ಪಡೆದಿರುವ ಅನುದಾನ ಎಷ್ಟು ? (ಕಳೆದ 3 ವರ್ಷಗಳ ಸಂಪೂರ್ಣ ವಿವರ ನೀಡುವುದು)

(ಈ) ಈ ಪ್ರಕರಣದಲ್ಲಿ ಸರ್ಕಾರ ಕೈಗೊಂಡಿರುವ ಕ್ರಮಗಳೇನು ; ನಿಯಮಾವಳಿಗಳನ್ನು ಪಾಲಿಸದಿರುವ ಸಂಘ ಸಂಸ್ಥೆಗಳಿಗೆ ಅನುದಾನ ಮಂಜೂರು ಮಾಡಿದ ಅಧಿಕಾರಿಗಳ ವಿರುದ್ಧ ಕೈಗೊಂಡಿರುವ ಕ್ರಮಗಳೇನು ; ಸ್ಪಷ್ಟ ಮಾಹಿತಿ ಒದಗಿಸುವುದು? (ಬೀದರ್ ಜಿಲ್ಲೆಗೆ ಸಂಬಂಧಪಟ್ಟ ಮಾಹಿತಿ ನೀಡುವುದು)